# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ

(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 01ನೇ ಜುಲೈ, 2014

(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1 . ಪ್ರಶ್ನೋತ್ತರ

| | | |
|---|---|---|
| ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು | : | ಏಳನೇ ಪಟ್ಟಿ |
| ಆ) ದಿನಾಂಕ 27.06.2014ರ ಐದನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ವಿ. ಸುನೀಲ್ ಕುಮಾರ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 65(511) | : | ಪೌರಾಡಳಿತ, ಸ್ಥಳೀಯ ಸಂಸ್ಥೆಗಳು ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರು |
| ಇ) ದಿನಾಂಕ 27.06.2014ರ ಐದನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 67(533) | : | ಮುಖ್ಯಮಂತ್ರಿಯವರು |
| ಈ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು | : | ಏಳನೇ ಪಟ್ಟಿ |

### 2. ಅರ್ಜಿಯನ್ನೊಪ್ಪಿಸುವುದು

ಶ್ರೀ ಎಸ್.ಸುರೇಶ್ ಕುಮಾರ್ (ಸದಸ್ಯರು, ಅರ್ಜಿಗಳ ಸಮಿತಿ) ಅವರು:-

ಬೆಂಗಳೂರು ದಕ್ಷಿಣ ತಾಲ್ಲೂಕು ಬೊಮ್ಮನಹಳ್ಳಿ ಹಾಗೂ ಆನೇಕಲ್ ತಾಲ್ಲೂಕು ವಿಧಾನ ಸಭಾ ಕ್ಷೇತ್ರ ವ್ಯಾಪ್ತಿಯ ವಾರ್ಡ್ ಸಂಖ್ಯೆ 191ರ ಎ.ಇ.ಸಿ.ಎಸ್. ಬಡಾವಣೆ 'ಎ' ಬ್ಲಾಕ್ ಸಿಂಗಸಂದ್ರದಲ್ಲಿ ಮೂಲಭೂತ ಸೌಕರ್ಯಗಳ ಕೊರತೆಯ ಬಗ್ಗೆ ಅರ್ಜಿಯನ್ನು ಒಪ್ಪಿಸುವುದು.

*ಪು.ತಿ.ನೋ.,*

## ೩ .ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ಮುಂದುವರೆದ ಚರ್ಚೆ, ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
| --- | --- |
| ೦7 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |

## 4. ಗಮನ ಸೆಳೆಯುವ ಸೂಚನೆಗಳು

1. ಶ್ರೀಯುತರುಗಳಾದ ವಿಶ್ವೇಶ್ವರ ಹೆಗಡೆ ಕಾಗೇರಿ, ಎಂ.ಪಿ. ಅಪ್ಪಚ್ಚುರಂಜನ್ ಹಾಗೂ ಡಿ.ಎನ್. ಜೀವರಾಜ್ ಅವರುಗಳು ಕರ್ನಾಟಕ ರಾಜ್ಯ ಕರಕುಶಲ ಅಭಿವೃದ್ಧಿ ನಿಗಮದಲ್ಲಿ ನೊಂದಣಿಯಾಗಿರುವ ಶ್ರೀಗಂಧ ಕೆತ್ತನೆಯ ಕುಶಲಕರ್ಮಿಗಳಿಗೆ ಅರಣ್ಯ ಇಲಾಖೆಯಿಂದ ಶ್ರೀಗಂಧ ಸರಬರಾಜು ಮಾಡಲು ಹಾಗೂ ಅಗತ್ಯ ಸಬ್ಸಿಡಿಯನ್ನು ಒದಗಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

2. ಶ್ರೀ ಗುರುಪಾದಪ್ಪ ನಾಗಮಾರಪಳ್ಳಿ ಅವರು ಬೀದರ್ ಜಿಲ್ಲೆಯಲ್ಲಿ ಬರಗಾಲ ಪರಿಸ್ಥಿತಿಯುಂಟಾಗಿರುವುದರಿಂದ ಬರಪರಿಹಾರ ಕಾಮಗಾರಿಗಳನ್ನು ಕೈಗೊಳ್ಳುವುದರ ಜೊತೆಗೆ ಕುಡಿಯುವ ನೀರಿನ ವ್ಯವಸ್ಥೆ ಹಾಗೂ ಜಾನುವಾರುಗಳಿಗೆ ಮೇವಿನ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

3. ಶ್ರೀ ವಿ. ಸುನೀಲ ಕುಮಾರ್ ಅವರು ಮಣಿಪಾಲ ಆಸ್ಪತ್ರೆಯಲ್ಲಿ ರಾಜ್ಯ ಸರ್ಕಾರ ಜಾರಿಗೆ ತಂದಿರುವ ವಾಜಪೇಯಿ ಆರೋಗ್ಯಶ್ರೀ ಯೋಜನೆಯಡಿ ಕ್ಯಾನ್ಸರ್ ರೋಗಕ್ಕೆ ಚಿಕಿತ್ಸೆ ಪಡೆಯಲು ಅವಕಾಶವಿಲ್ಲದಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4. ಶ್ರೀ ಹೆಚ್.ಡಿ.ರೇವಣ್ಣ ಅವರು ಹಾಸನ ಜಿಲ್ಲೆ ಚನ್ನರಾಯಪಟ್ಟಣ ತಾಲ್ಲೂಕಿನ ಬಹುತೇಕ ಗ್ರಾಮಗಳಿಗೆ ಬಹು ಗ್ರಾಮ ಕುಡಿಯುವ ನೀರಿನ ಯೋಜನೆಯಡಿ ಸರ್ಕಾರದಿಂದ ಮಂಜೂರಾತಿ ದೊರೆಯಲು ಗ್ರಾಮಸ್ಥರಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

5. ಶ್ರೀ ಎಸ್. ಮಧು ಬಂಗಾರಪ್ಪ ಅವರು ರಾಜ್ಯದಲ್ಲಿ ಬಹುತೇಕ ವೈದ್ಯರುಗಳು ನಗರಪ್ರದೇಶದಲ್ಲಿ ಸೇವೆ ಸಲ್ಲಿಸಲು ಇಚ್ಛಿಸುತ್ತಿರುವುದರಿಂದ ಗ್ರಾಮಾಂತರ ಪ್ರದೇಶಗಳ ಬಡ ರೋಗಿಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

*ಪು.ತಿ.ನೋ.,*

6. ಶ್ರೀ ಕೆ.ಜಿ. ಬೋಪಯ್ಯ ಅವರು ಮೈಸೂರು- ಬಂಟ್ವಾಳ ರಾಜ್ಯ ಹೆದ್ದಾರಿಯ ಮಡಿಕೇರಿ ವಿಭಾಗದ ಬೋಯಿಕೇರಿ, ಸಂಪಾಜೆ, ಮಧ್ಯಭಾಗದಲ್ಲಿ ಹಾಗೂ ಕುಟ್ಲೆಯ ಟಿ ಶೆಟ್ಟಿಗೇರಿ ಭಾಗದಲ್ಲಿನ ರಾಜ್ಯ ಹೆದ್ದಾರಿಯ ದುರಸ್ತಿ ಕಾಮಗಾರಿಯನ್ನು ಪೂರ್ಣಗೊಳಿಸದಿರುವುದರಿಂದ ವಾಹನ ಸಂಚಾರಕ್ಕೆ ಅಡಚಣೆಯಾಗುತ್ತಿರುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

7. ಶ್ರೀ ಹೆಚ್. ಆರ್ ಅಲಗೂರ (ರಾಜು) ಅವರು ಬಿಜಾಪುರ ತಾಲ್ಲೂಕಿನ ತೊರವಿ ಗ್ರಾಮವನ್ನು ಬಿಜಾಪುರ ಕಾರ್ಪೋರೇಷನ್ ವ್ಯಾಪ್ತಿಗೆ ಸೇರಿಸುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

8. ಶ್ರೀ ಜಿ. ಹೆಚ್. ಶ್ರೀನಿವಾಸ ಅವರು ರಾಜ್ಯದಲ್ಲಿ ಕಳೆದ ಎರಡು ವರ್ಷಗಳಿಂದ ಹೊಸ ಪಿ.ಯು.ಸಿ ಕಾಲೇಜುಗಳು ಪ್ರಾರಂಭವಾಗದಿರುವುದರಿಂದ ವಿದ್ಯಾರ್ಥಿಗಳಿಗೆ ತೊಂದರೆಯುಂಟಾಗುತ್ತಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರ ಗಮನ ಸೆಳೆಯುವುದು.

9. ಶ್ರೀ ಬಿ.ಬಿ. ನಿಂಗಯ್ಯ ಅವರು ಮೂಡಿಗೆರೆ ವಿಧಾನಸಭಾ ಕ್ಷೇತ್ರದ ಮೂಡಿಗೆರೆ ಪಟ್ಟಣದಲ್ಲಿ ಹಿಂದೆ ಇದ್ದ ಬಸ್ ನಿಲ್ದಾಣವನ್ನು ಒಡೆದುಹಾಕಿ ಹೊಸ ಬಸ್ ನಿಲ್ದಾಣವನ್ನು ನಿರ್ಮಿಸಲು ಪ್ರಾರಂಭಿಸಿರುವ ಕಾಮಗಾರಿಯು ಪೂರ್ಣಗೊಳ್ಳದೆ ಪ್ರಯಾಣಿಕರಿಗೆ ತೊಂದರೆಯಾಗುತ್ತಿರುವ ಬಗ್ಗೆ ಸಾರಿಗೆ ಸಚಿವರ ಗಮನ ಸೆಳೆಯುವುದು.

10. ಶ್ರೀ ಎನ್. ಚಲುವರಾಯಸ್ವಾಮಿ ಅವರು ನಾಗಮಂಗಲ ಪಟ್ಟಣ ಪಂಚಾಯತಿಯ ಸೂಪರ್ ಮಾರ್ಕೆಟ್ ಕಾಂಪ್ಲೆಕ್ಸ್‌ನ ಕಾಮಗಾರಿಗಳನ್ನು ಪೂರ್ಣಗೊಳಿಸಲು ಅನುದಾನ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

11. ಶ್ರೀ ಕೆ.ಎಸ್. ಮಂಜುನಾಥಗೌಡ ಅವರು ಮಾಲೂರು ಪುರಸಭೆಯಲ್ಲಿ ಮಂಜೂರಾಗಿರುವ ಗ್ಯಾಂಗ್‌ಮನ್‌ಗಳ ಹುದ್ದೆಗಳು ಭರ್ತಿಯಾಗದೇ ದೈನಂದಿನ ಕೆಲಸ ಕಾರ್ಯಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

ಶ್ರೀಯುತರುಗಳಾದ ವೈ.ಎಸ್.ವಿ.ದತ್ತ, ಹೆಚ್.ಡಿ.ರೇವಣ್ಣ, ಹೆಚ್.ಕೆ.ಕುಮಾರಸ್ವಾಮಿ, ಎನ್. ಚಲುವರಾಯಸ್ವಾಮಿ ಮತ್ತು ಕೆ.ಎಂ.ಶಿವಲಿಂಗೇಗೌಡ ಹಾಗೂ ಇತರರು ಸಾರ್ವಜನಿಕ ಆಸ್ತಿಯನ್ನು ರಕ್ಷಿಸುವ ಸಂಬಂಧದಲ್ಲಿ ಕಾರ್ಯನಿರತರಾಗಿದ್ದ ವಿಧಾನಸಭೆ ಸದಸ್ಯರಾದ ಶ್ರೀ ಎಂ.ಕೃಷ್ಣಾರೆಡ್ಡಿ ಅವರ ಮೇಲೆ ಮತ್ತು ಮಂಗಳೂರು ಮಹಾನಗರ ಪಾಲಿಕೆಯ ಹಿರಿಯ ಜನತಾದಳ(ಎಸ್) ಸದಸ್ಯರ ಮೇಲೆ ಸುಳ್ಳು ಕೊಲೆ ಮೊಕದ್ದಮೆಯ ಪ್ರಕರಣ ದಾಖಲಿಸಿರುವ ಬಗ್ಗೆ ಚರ್ಚೆ.

*ಮು.ತಿ.ನೋ.,*

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1. ಶ್ರೀ ನಾರಾಯಣಸ್ವಾಮಿ ಎಸ್.ಎನ್. ಅವರು "ಗಂಗಾ ಕಲ್ಯಾಣ ಇಲಾಖೆ ಕೊಳವೆ ಬಾವಿಗಳ ಮಂಜೂರಾತಿ" ಬಗ್ಗೆ ದಿನಾಂಕ 26.06.2014ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ನಾಲ್ಕನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 54(295)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2. ಶ್ರೀ ಕೆ.ಆರ್. ರಮೇಶ್‌ಕುಮಾರ್ ಅವರು "ಸ್ವಾಯತ್ತ ವಿಶ್ವವಿದ್ಯಾಲಯಗಳ" ಬಗ್ಗೆ ದಿನಾಂಕ 26.06.2014ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ನಾಲ್ಕನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 56(299)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)